ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ

**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ಕಳೆದ ಒಂದು ವರ್ಷದ ಅವಧಿಯಲ್ಲಿ ಸಂಗ್ರಹಿಸಲಾದ ಟೋಲ್ ಫೀಸ್ ಬಗ್ಗೆ

ಡಾ|| ಚಂದ್ರಶೇಖರ್ ಬಿ. ಪಾಟೀಲ್ (ಪದವೀಧರರ ಕ್ಷೇತ್ರ) :-

487(345) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಸಾರಿಗೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಸಾರಿಗೆ ಇಲಾಖೆಯಿಂದ ಕಳೆದ ಒಂದು ವರ್ಷದಲ್ಲಿ ಎಷ್ಟು ಹಣ ಟೋಲ್ ಫೀಸ್ ಸಂಗ್ರವಾಗಿದೆ ;

(ಆ) ಸಾರಿಗೆ ಇಲಾಖೆಯಲ್ಲಿ ನಾಲ್ಕು ನಿಗಮಗಳು ನಷ್ಟದಲ್ಲಿ ನಡೆಯುತ್ತಿರುವುದು ನಿಜವೇ; ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ವಿವರ ನೀಡುವುದು ;

(ಇ) ಇಲಾಖೆಯಲ್ಲಿ ಅಂತರ ನಿಗಮ ವರ್ಗಾವಣೆಗೆ ಅವಕಾಶ ಕಲ್ಪಿಸುವ ಪ್ರಸ್ತಾವ ಸರ್ಕಾರದ ಮುಂದಿದೆಯೇ ;

(ಈ) ಕಲ್ಯಾಣ ಕರ್ನಾಟಕ ಪ್ರದೇಶಕ್ಕೆ 371 ಜೆ ಜಾರಿಯಾದ ಮೇಲೆ ಆ ಭಾಗದಲ್ಲಿ ಎಷ್ಟು ಹುದ್ದೆಗಳನ್ನು ಸಾರಿಗೆ ಇಲಾಖೆಯಲ್ಲಿ ಭರ್ತಿ ಮಾಡಲಾಗಿದೆ ; ಕಲ್ಯಾಣ ಕರ್ನಾಟಕ ಭಾಗದಲ್ಲಿ ಖಾಲಿ ಇರುವ ಹುದ್ದೆಗಳೆಷ್ಟು; ಖಾಲಿ ಹುದ್ದೆಗಳಿಗೆ ಭರ್ತಿಗೆ ಸರ್ಕಾರ ಕೈಗೊಂಡ ಕ್ರಮಗಳೇನು ?